ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಬುಧವಾರ, ದಿನಾಂಕ : 04 ನೇ ಮಾರ್ಚ್, 2020

ವಸತಿ ಯೋಜನೆಗಳಡಿ ಮನೆ ನಿರ್ಮಾಣದ ಕುರಿತು

ಶ್ರೀ ಕೆ.ಎ. ತಿಪ್ಪೇಸ್ವಾಮಿ (ನಾಮನಿರ್ದೇಶನ ಹೊಂದಿದವರು) -

ಶ್ರೀ ಎನ್. ಅಪ್ಪಾಜಿಗೌಡ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) -

37 (258+305) ಮಾನ್ಯ ವಸತಿ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ಆಶ್ರಯ, ಅಂಬೇಡ್ಕರ್, ಬಸವ ಯೋಜನೆಗಳಡಿಯಲ್ಲಿ ಮಂಜೂರಾದ ಮನೆ ನಿರ್ಮಾಣ ಕಾಮಗಾರಿಗಳು ರಾಜೀವ್‌ಗಾಂಧಿ ವಸತಿ ನಿಗಮದಲ್ಲಿ ಸ್ಥಗಿತಗೊಂಡಿದ್ದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಬಂದಿದ್ದಲ್ಲಿ, ಸ್ಥಗಿತಗೊಂಡಿರುವ ಮನೆ ಕಾಮಗಾರಿಗಳನ್ನು ಪೂರ್ಣಗೊಳಿಸಲು ಕೈಗೊಂಡಿರುವ ಕ್ರಮಗಳೇನು ;

(ಇ) ತುಮಕೂರು ಹಾಗೂ ಮಂಡ್ಯ ಜಿಲ್ಲೆಯಲ್ಲಿ ವಸತಿ ರಹಿತರಿಗೆ ಕಳೆದ 3 ವರ್ಷಗಳಲ್ಲಿ ಕೇಂದ್ರ ಮತ್ತು ರಾಜ್ಯ ಸರ್ಕಾರದಿಂದ ಯಾವ ಯಾವ ಯೋಜನೆಗಳಲ್ಲಿ ಎಷ್ಟು ವಸತಿಗಳನ್ನು ಮಂಜೂರು ಮಾಡಲಾಗಿದೆ ; (ತಾಲ್ಲೂಕುವಾರು ವಿವರ ನೀಡುವುದು)

(ಈ) ಈ ಪೈಕಿ ಮನೆ ನಿರ್ಮಾಣ ಪೂರ್ಣಗೊಂಡಿರುವ ಮತ್ತು ಅಪೂರ್ಣಗೊಂಡಿರುವ ಮನೆಗಳ ಸಂಖ್ಯೆ ಎಷ್ಟು ; (ತಾಲ್ಲೂಕುವಾರು ವಿವರ ನೀಡುವುದು)

(ಉ) ಅಪೂರ್ಣಗೊಂಡಿರುವ ಮನೆಗಳನ್ನು ಯಾವ ಕಾಲಮಿತಿಯೊಳಗಾಗಿ ಪೂರ್ಣಗೊಳಿಸಲಾಗುವುದು ;

(ಊ) ಈ ಯೋಜನೆಗಳಡಿ ಮನೆಗಳನ್ನು ನಿರ್ಮಿಸಲು ವಿಧಿಸಿರುವ ನಿಬಂಧನೆ/ ಷರತ್ತುಗಳೇನು ;

(ಋ) ಸದರಿ ಯೋಜನೆಗಳಡಿಯಲ್ಲಿ ಮನೆ ನಿರ್ಮಾಣಕ್ಕೆ ತಗಲುವ ವೆಚ್ಚವೆಷ್ಟು ;